ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಗುರುವಾರ, ದಿನಾಂಕ : 24 ನೇ ಸೆಪ್ಟೆಂಬರ್, 2020

ಇಸ್ಲಾಮಿಯಾ ಇನ್ಸ್‌ಟಿಟ್ಯೂಟ್ ಆಫ್ ಟೆಕ್ನಾಲಜಿ ಕಾಲೇಜಿನ ಕುರಿತು

ಶ್ರೀ ಎನ್. ರವಿಕುಮಾರ್(ವಿಧಾನ ಸಭೆಯಿಂದ ಚುನಾಯಿತರಾದವರು ) –

534 (636) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಬೆಂಗಳೂರು ನಗರ ಜಿಲ್ಲೆಯ ಬೆಂಗಳೂರು ದಕ್ಷಿಣ ತಾಲ್ಲೂಕಿನ ಬೇಗೂರು ಹೋಬಳಿಯ ಹುಳಿಮಾವು ಗ್ರಾಮದ ಸರ್ವೇ, 63ರಲ್ಲಿನ ಇಸ್ಲಾಮಿಯಾ ಇನ್ಸ್‌ಟಿಟ್ಯೂಟ್ ಆಫ್ ಟೆಕ್ನಾಲಜಿ ಕಾಲೇಜಿಗೆ ವಿದ್ಯುತ್ ಮತ್ತು ನೀರಿನ ಸಂಪರ್ಕವನ್ನು ನೀಡಲಾಗಿತ್ತೇ; ನೀಡಿದ್ದಲ್ಲಿ, ಯಾವ ಆಧಾರದಲ್ಲಿ ಯಾರ ಆದೇಶದ ಮೇರೆಗೆ ಒದಗಿಸಲಾಗಿತ್ತು; ವಿದ್ಯುತ್ ಮತ್ತು ನೀರಿನ ಸಂಪರ್ಕ ಒದಗಿಸಲು ಅನುಮತಿಸಿದ ಆದೇಶದ ಪ್ರತಿ ಒದಗಿಸುವುದು;

(ಆ) ಸದರಿ ಕಾಲೇಜನ್ನು ಒತ್ತುವರಿ ಜಾಗದಲ್ಲಿ ನಿರ್ಮಿಸಲಾಗಿದ್ದು, ತೆರವುಗೊಳಿಸಲು ಆದೇಶ ಹೊರಡಿಸಿದ ಮೇಲೆ ವಿದ್ಯುತ್ ಮತ್ತು ನೀರಿನ ಸಂಪರ್ಕವನ್ನು ಕಡಿತಗೊಳಿಸಲಾಗಿದೆಯೇ; ಇಲ್ಲವಾದಲ್ಲಿ ಯಾವಾಗ ಕಡಿತಗೊಳಿಸಲಾಗುವುದು; ಇದುವರೆವಿಗೂ ಅಕ್ರಮವಾಗಿ ನೀಡಿರುವ ಸಂಪರ್ಕಗಳನ್ನು ಕಡಿತಗೊಳಿಸದ ಅಧಿಕಾರಿಗಳ ಮೇಲೆ ಯಾವ ಕ್ರಮಕೈಗೊಳ್ಳಲಾಗಿದೆ;

(ಇ) ಈ ಕಾಲೇಜಿನ ಆಡಳಿತ ಮಂಡಳಿಯವರು ಬೆಂಗಳೂರು ನಗರ ಜಿಲ್ಲೆಯ ಬೆಂಗಳೂರು ದಕ್ಷಿಣ ತಾಲ್ಲೂಕಿನ ಬೇಗೂರು ಹೋಬಳಿಯ ಹುಳಿಮಾವು ಗ್ರಾಮದ ಸರ್ವೇ 63ರ ಒತ್ತುವರಿ ಮಾಡಿಕೊಂಡಿರುವ 5 ಎಕರೆ ಸ್ಥಳದಲ್ಲಿ ಕಟ್ಟಡ ನಿರ್ಮಿಸಲು ಅನುಮತಿ ನೀಡಲಾಗಿತ್ತೇ; ಅನುಮಾತಿ ನೀಡಿದವರು ಯಾರು; ಕಟ್ಟಡ ನಿರ್ಮಿಸಲು ಅನುಮತಿ ಕೋರಿ ಸಲ್ಲಿಸಿದ ದಾಖಲೆಗಳ ಪ್ರತಿ ಒದಗಿಸುವುದು;

(ಈ) ಜಾಗದ ಅಕ್ರಮ ಒತ್ತುವರಿ ಮತ್ತು ಕಟ್ಟಡ ನಿರ್ಮಾಣದಲ್ಲಿ ಸಹಕರಿಸಿದ ಅಧಿಕಾರಿಗಳ ಮೇಲೆ ಯಾವ ಕ್ರಮ ಕೈಗೊಳ್ಳಲಾಗಿದೆ?